

# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 1069
ಸದಸ್ಯರ ಹೆಸರು : ಶ್ರೀ ಎಂ.ಎ. ಗೋಪಾಲಸ್ವಾಮಿ
ಉತ್ತರಿಸುವ ದಿನಾಂಕ : 21/09/2021
ಉತ್ತರಿಸುವ ಸಚಿವರು : ಮಾನ್ಯ ಪೌರಾಡಳಿತ, ಸಣ್ಣ ಕೈಗಾರಿಕೆಗಳು ಹಾಗೂ ಸಾರ್ವಜನಿಕ ಉದ್ದಿಮೆಗಳ ಸಚಿವರು

| ಕ್ರ. ಸಂ. | ಪ್ರಶ್ನೆ | ಉತ್ತರ |
|---|---|---|
| (ಅ) | ಯಾವುದೇ ಹೋಬಳಿ ಕೇಂದ್ರ ಅಥವಾ ಗ್ರಾಮವನ್ನು ಕೇಂದ್ರವನ್ನಾಗಿಸಿಕೊಂಡು ಹೊಸ ಪಟ್ಟಣ ಪಂಚಾಯಿತಿ ರಚನೆ ಮಾಡಲು ಇರಬೇಕಾದ ಅರ್ಹತೆ /ಮಾನದಂಡಗಳೇನು; (ಆದೇಶ ಸಹಿತ ವಿವರ ನೀಡುವುದು) | ಪಟ್ಟಣ ಪಂಚಾಯಿತಿಯನ್ನಾಗಿ ಮೇಲ್ದರ್ಜೆಗೇರಿಸಲು ಕರ್ನಾಟಕ ಪುರಸಭೆ ಅಧಿನಿಯಮ 1964 ಕಲಂ 349 ರನ್ವಯ ಈ ಕೆಳಕಂಡ ಮಾನದಂಡಗಳನ್ನು ಅನುಸರಿಸಲಾಗುತ್ತದೆ:<br>1. ಅಂತಹ ಪ್ರದೇಶದ ಜನಸಂಖ್ಯೆಯು 10,000 ಕ್ಕೆ ಕಡಿಮೆ ಇಲ್ಲದಂತೆ ಹಾಗೂ 20,000 ಕ್ಕೆ ಹೆಚ್ಚಿಲ್ಲದಂತಿರಬೇಕು.<br>2. ಅಂತಹ ಪ್ರದೇಶದ ಜನಸಂಖ್ಯೆಯ ಜನಸಾಂದ್ರತೆಯು ಆ ಪ್ರದೇಶದ ಒಂದು ಚ.ಕಿ.ಮೀ ವಿಸ್ತೀರ್ಣಕ್ಕೆ 400 ಕ್ಕಿಂತ ಕಡಿಮೆ ಇಲ್ಲದಿರುವುದು.<br>3. ಕೃಷಿಯೇತರ ಚಟುವಟಿಕೆಗಳಲ್ಲಿನ ಉದ್ಯೋಗಾವಕಾಶಗಳ ಶೇಕಡಾವಾರು ಪ್ರಮಾಣವು ಒಟ್ಟು ಉದ್ಯೋಗದ ಪ್ರಮಾಣದ ಶೇ.50 ಕ್ಕಿಂತ ಕಡಿಮೆ ಇಲ್ಲದಿರುವುದು.<br>ಮುಂದುವರೆದು, ದಿನಾಂಕ 19.03.2015 ರ ಸಚಿವ ಸಂಪುಟ ಸಭೆಯ ನಿರ್ಣಯದಂತೆ 10,000 ಬದಲಿಗೆ 15,000ಕ್ಕಿಂತ ಹೆಚ್ಚು ಜನಸಂಖ್ಯೆ ಹೊಂದಿರುವ ಗ್ರಾಮ ಪಂಚಾಯಿತಿಗಳನ್ನು ಮಾತ್ರ ಮೇಲ್ದರ್ಜೆಗೇರಿಸಲು ಕ್ರಮವಹಿಸಲಾಗುತ್ತಿದೆ. |
| (ಆ) | ಹಾಸನ ಜಿಲ್ಲೆ ಚನ್ನರಾಯಪಟ್ಟಣ ತಾಲ್ಲೂಕಿನ ಶ್ರವಣಬೆಳಗೊಳ ಹೋಬಳಿ ಕೇಂದ್ರವು ಧಾರ್ಮಿಕ, ಶೈಕ್ಷಣಿಕ ಮತ್ತು ವಾಣಿಜ್ಯ ಕೇಂದ್ರವಾಗಿ ಬೆಳವಣಿಗೆ ಹೊಂದಿದ್ದು, ಶ್ರವಣಬೆಳಗೊಳ ಮತ್ತು ಇದರ ಅಕ್ಕಪಕ್ಕದಲ್ಲಿರುವ ಗ್ರಾಮಗಳನ್ನು ಸೇರಿಸಿಕೊಂಡು ಶ್ರವಣಬೆಳಗೊಳವನ್ನು ಹೊಸ ಪಟ್ಟಣ ಪಂಚಾಯಿತಿಯನ್ನಾಗಿ ಘೋಷಣೆ ಮಾಡುವ ಆಲೋಚನೆ ಸರ್ಕಾರಕ್ಕಿದೆಯೇ ಅಥವಾ ಶ್ರವಣಬೆಳಗೊಳವನ್ನು ಹೊಸ ಪಟ್ಟಣ ಪಂಚಾಯಿತಿಯನ್ನಾಗಿ ಘೋಷಣೆ ಮಾಡುವ ಬಗ್ಗೆ ಸರ್ಕಾರದ ನಿಲುವೇನು; (ಮಾಹಿತಿ ನೀಡುವುದು) | ಹಾಸನ ಜಿಲ್ಲೆ, ಚನ್ನರಾಯಪಟ್ಟಣ ತಾಲ್ಲೂಕಿನ ಶ್ರವಣಬೆಳಗೊಳವನ್ನು ಪಟ್ಟಣ ಪಂಚಾಯಿತಿಯನ್ನಾಗಿ ಮೇಲ್ದರ್ಜೆಗೇರಿಸುವ ಕುರಿತು ಹಾಸನ ಜಿಲ್ಲಾಧಿಕಾರಿ ರವರಿಂದ ಸಲ್ಲಿಸಲಾಗುವ ಪ್ರಸ್ತಾವನೆಯು ಸೂಕ್ತ ಶಿಫಾರಸ್ಸಿನೊಂದಿಗೆ ಪೌರಾಡಳಿತ ನಿರ್ದೇಶಕರ ಮುಖಾಂತರ ಸರ್ಕಾರಕ್ಕೆ ಸಲ್ಲಿಸಲ್ಪಟ್ಟಲ್ಲಿ ನಿಯಮಾನುಸಾರ ಕ್ರಮವಹಿಸಲಾಗುತ್ತದೆ. |

| | | |
|---|---|---|
| (ಇ) | ಚನ್ನರಾಯಪಟ್ಟಣ ತಾಲ್ಲೂಕು ಕೇಂದ್ರವು ಧಾರ್ಮಿಕ, ಶೈಕ್ಷಣಿಕ ಮತ್ತು ವಾಣಿಜ್ಯ ಕೇಂದ್ರವಾಗಿ ಬೆಳವಣಿಗೆ ಹೊಂದಿದ್ದು, ಇದರ ಅಕ್ಕಪಕ್ಕದಲ್ಲಿರುವ ಗ್ರಾಮಗಳನ್ನು ಸೇರಿಸಿಕೊಂಡು ಚನ್ನರಾಯಪಟ್ಟಣ ಪುರಸಭೆಯನ್ನು ನಗರಸಭೆಯನ್ನಾಗಿ ಘೋಷಣೆ ಮಾಡುವ ಆಲೋಚನೆ ಸರ್ಕಾರಕ್ಕಿದೆಯೇ: | ಹಾಸನ ಜಿಲ್ಲೆ, ಚನ್ನರಾಯಪಟ್ಟಣ ಪುರಸಭೆಯನ್ನು ನಗರಸಭೆಯನ್ನಾಗಿ ಮೇಲ್ದರ್ಜೆಗೇರಿಸುವ ಕುರಿತು ಹಾಸನ ಜಿಲ್ಲಾಧಿಕಾರಿ ರವರಿಂದ ಸಲ್ಲಿಸಲಾಗುವ ಪ್ರಸ್ತಾವನೆಯು ಸೂಕ್ತ ಶಿಫಾರಸ್ಸಿನೊಂದಿಗೆ ಪೌರಾಡಳಿತ ನಿರ್ದೇಶಕರ ಮುಖಾಂತರ ಸರ್ಕಾರಕ್ಕೆ ಸಲ್ಲಿಸಲ್ಪಟ್ಟಲ್ಲಿ ನಿಯಮಾನುಸಾರ ಕ್ರಮವಹಿಸಲಾಗುತ್ತದೆ. |
| (ಈ) | ಹಾಗಿದ್ದಲ್ಲಿ, ಯಾವ ಯಾವ ಗ್ರಾಮಗಳನ್ನು ನಗರಸಭೆ ವ್ಯಾಪ್ತಿಗೆ ಸೇರಿಸಲಾಗುವುದು; ಚನ್ನರಾಯಪಟ್ಟಣ ಪುರಸಭೆಯನ್ನು ನಗರಸಭೆಯನ್ನಾಗಿ ಘೋಷಣೆ ಮಾಡುವ ಬಗ್ಗೆ ಸರ್ಕಾರದ ನಿಲುವೇನು? (ಮಾಹಿತಿ ನೀಡುವುದು) | |

ಸಂಖ್ಯೆ: ನಅಇ 36 ಎಲ್‌ಸಿಕ್ಯೂ 2021

**(ಎನ್. ನಾಗರಾಜು ಎಂ ಟಿ ಬಿ)**
ಮಾನ್ಯ ಪೌರಾಡಳಿತ, ಸಣ್ಣ ಕೈಗಾರಿಕೆಗಳು ಹಾಗೂ
ಸಾರ್ವಜನಿಕ ಉದ್ದಿಮೆಗಳ ಸಚಿವರು